# ಸಂನ್ಯಾಸಿ ಗೀತೆ

ಏಳು, ಮೇಲೇಳೇಳು ಸಾಧುವೆ, ಹಾಡು ಚಾಗಿಯ ಹಾಡನು;
ಹಾಡಿನಿಂದೆಚ್ಚರಿಸು ಮಲಗಿಹ ನಮ್ಮ ಈ ತಾಯ್ನಾಡನು!
ದೂರದಡವಿಯೊಳೆಲ್ಲಿ ಲೌಕಿಕ ವಿಷಯವಾಸನೆ ಮುಟ್ಟದೊ,
ಎಲ್ಲಿ ಗಿರಿಗುಹೆಕಂದರದ ಬಳಿ ಜಗದ ಗಲಿಬಿಲಿ ತಟ್ಟದೊ,

ಎಲ್ಲಿ ಕಾಮವು ಸುಳಿಯದೊ – ಮೇಣ್
ಎಲ್ಲಿ ಜೀವವು ತಿಳಿಯದೊ

ಕೀರ್ತಿ ಕಾಂಚನವೆಂಬುವಾಸೆಗಳಿಂದ ಜನಿಸುವ ಭ್ರಾಂತಿಯ,
ಎಲ್ಲಿ ಆತ್ಮವು ಪಡೆದು ನಲಿವುದೊ ನಿಚ್ಚವಾಗಿಹ ಶಾಂತಿಯ,
ನನ್ನಿಯರಿವಾನಂದವಾಹಿನಿಯೆಲ್ಲಿ ಸಂತತ ಹರಿವುದೊ,
ಎಲ್ಲಿ ಎಡೆಬಿಡದಿರದ ತೃಪ್ತಿಯ ಝರಿ ನಿರಂತರ ಸುರಿವುದೊ
ಅಲ್ಲಿ ಮೂಡಿದ ಹಾಡನುಲಿಯೈ, ವೀರಸಂನ್ಯಾಸಿ –

ಓಂ! ತತ್! ಸತ್! ಓಂ! ॥ ೧ ॥

ಕುಟ್ಟಿ ಪುಡಿಪುಡಿ ಮಾಡು ಮಾಯೆಯು ಕಟ್ಟಿಬಿಗಿದಿಹ ಹಗ್ಗವ;
ಕಿತ್ತು ಬಿಸುಡೈ ಹೊಳೆವ ಹೊನ್ನಿನ ಹೆಣ್ಣುಮಣ್ಣಿನ ಕಗ್ಗವ!
ಮುದ್ದಿಸಲಿ ಪೀಡಿಸಲಿ ದಾಸನು ದಾಸನೆಂಬುದೆ ಸತ್ಯವು;
ಕಬ್ಬಿಣವೊ? ಕಾಂಚನವೊ? ಕಟ್ಟಿದ ಕಣ್ಣಿ ಕಣ್ಣಿಯೆ ನಿತ್ಯವು.

ಪಾಪಪುಣ್ಯಗಳೆಂಬವು, –
ಮಾತ್ಸರ್ಯ ಪ್ರೇಮಗಳೆಂಬವು

ದ್ವಂದ್ವರಾಜ್ಯದ ಧೂರ್ತಚೋರರು! ಬಿಟ್ಟು ಕಳೆ, ಕಳೆಯವರನು!
ಮೋಹಗೊಳಿಪರು, ಬಿಗಿವರಿರಿವರು; ಎಚ್ಚರಿಕೆಯಿಂದವರನು
ತಳ್ಳು ದೂರಕೆ, ಓ ವಿರಕ್ತನೆ! ಹಾಡು ಚಾಗಿಯ ಹಾಡನು!
ಹಾಡಿನಿಂದೆಚ್ಚರಿಸು ಮಲಗಿಹ ನಮ್ಮ ಈ ತಾಯ್ನಾಡನು!
ಹಾಡು ಮುಕ್ತಿಯ ಗಾನವನು, ಓ ವೀರಸಂನ್ಯಾಸಿ–

ಓಂ! ತತ್! ಸತ್! ಓಂ! ॥ ೨ ॥

ಕತ್ತಲಳಿಯಲಿ; ಮಬ್ಬುಕವಿಸುವ ಭವದ ತೃಷ್ಣೆಯು ಬತ್ತಲಿ;
ಬಾಳಮೋಹವು ಮರುಮರೀಚಿಕೆ; ಮಾಯೆಕೆತ್ತಿದ ಪುತ್ತಳಿ;
ಜನನದೆಡೆಯಿಂ ಮರಣದೆಡೆಗಾಗೆಳೆವುದೆಮ್ಮನು ದೇಹವು!
ಜನ್ಮಜನ್ಮದಿ ಮರಳಿ ಮರಳುವುದೆಮ್ಮ ಬಿಗಿಯಲು ಮೋಹವು!

ತನ್ನ ಜಯಿಸಿದ ಶಕ್ತನು–
ಅವನೆಲ್ಲ ಜಯಿಸಿದ ಮುಕ್ತನು!

ಎಂಬುದನು ತಿಳಿ; ಹಿಂಜರಿಯದಿರು. ಸಂನ್ಯಾಸಿಯೇ, ನಡೆ ಮುಂದಕೆ.
ಗುರಿಯು ದೊರಕುವವರೆಗೆ ನಡೆ, ನಡೆ; ನೋಡದಿರು ನೀ ಹಿಂದಕೆ.
ಏಳು, ಮೇಲೇಳೇಳು ಸಾಧುವೆ, ಹಾಡು ಚಾಗಿಯ ಹಾಡನು;
ಹಾಡಿನಿಂದೆಚ್ಚರಿಸು ಮಲಗಿಹ ನಮ್ಮ ಈ ತಾಯ್ನಾಡನು!
ಹಾಡು ಸಿದ್ಧನೆ, ಓ ಪ್ರಬುದ್ಧನೆ, ಹಾಡು ಸಂನ್ಯಾಸಿ–

ಓಂ! ತತ್! ಸತ್! ಓಂ! ॥ ೩ ॥

"ಬೆಳೆಯ ಕೊಯ್ವನು ಬಿತ್ತಿದಾತನು; ಪಾಪ ಪಾಪಕೆ ಕಾರಣ;
ವೃಕ್ಷಕಾರ್ಯಕೆ ಬೀಜಕಾರಣ; ಪುಣ್ಯ, ಪುಣ್ಯಕೆ ಕಾರಣ;
ಹುಟ್ಟಿ ಮೈವಡೆದಾತ್ಮ ಬಾಳಿನ ಬಲೆಯ ತಪ್ಪದೆ ಹೊರುವುದು;
ಕಟ್ಟು ಮೀರಿಹನಾವನಿರುವನು? ಕಟ್ಟು ಕಟ್ಟನೆ ಹೆರುವುದು!"

ಎಂದು ಪಂಡಿತರೆಂಬರು– ಮೇಣ್
ತತ್ತ್ವದರ್ಶಿಗಳೆಂಬರು!

ಆದೊಡೇನಂತಾತ್ಮವೆಂಬುದು ನಾಮರೂಪಾತೀತವು;
ಮುಕ್ತಿಬಂಧಗಳಿಲ್ಲದಾತ್ಮವು ಸರ್ವನಿಯಮಾತೀತವು!
ತತ್ತ್ವಮಸಿ ಎಂದರಿತು, ಸಾಧುವೆ, ಹಾಡು ಚಾಗಿಯ ಹಾಡನು!
ಹಾಡಿನಿಂದೆಚ್ಚರಿಸು ಮಲಗಿಹ ನಮ್ಮ ಈ ತಾಯ್ನಾಡನು!
ಸಾರು ಸಿದ್ಧನೆ, ವಿಶ್ವವರಿಯಲಿ! ಹಾಡು ಸಂನ್ಯಾಸಿ–

ಓಂ! ತತ್! ಸತ್! ಓಂ! ॥ ೪ ॥

ತಂದೆ ತಾಯಿಯು ಸತಿಯು ಮಕ್ಕಳು ಗೆಳೆಯರೆಂಬುವರರಿಯರು;
ಕನಸುಕಾಣುತಲವರು ಸೊನ್ನೆಯೆ ಸರ್ವವೆನ್ನುತ ಮೆರೆವರು.
ಲಿಂಗವರಿಯದ ಆತ್ಮವಾರಿಗೆ ಮಗುವು? ಆರಿಗೆ ತಾತನು?
ಆರ ಮಿತ್ರನು? ಆರ ಶತ್ರುವು? ಒಂದೆಯಾಗಿರುವಾತನು?

ಆತ್ಮವೆಲ್ಲಿಯು ಇರುವುದು; –ಮೇಣ್
ಆತ್ಮವೊಂದಾಗಿರುವುದು.

ಭೇದವೆಂಬುವ ತೋರಿಕೆಯು ನಮ್ಮಾತ್ಮನಾಶಕೆ ಹೇತುವು.
ಭೇದವನು ತೊರೆದೊಂದೆಯೆಂಬುದನರಿಯೆ ಮುಕ್ತಿಗೆ ಸೇತುವು.
ಧೈರ್ಯದಿಂದಿದನೆಲ್ಲರಾಲಿಸೆ ಹಾಡು ಚಾಗಿಯ ಹಾಡನು!
ಹಾಡಿನಿಂದೆಚ್ಚರಿಸು ಮಲಗಿಹ ನಮ್ಮ ಈ ತಾಯ್ನಾಡನು!
ಸಾರು, ಜೀವನ್ಮುಕ್ತ! ಸಾರೈ ಧೀರ ಸಂನ್ಯಾಸಿ –
ಓಂ! ತತ್! ಸತ್! ಓಂ! ॥ ೫ ॥

ಇರುವುದೊಂದೇ! ನಿತ್ಯಮುಕ್ತನು, ಸರ್ವಜ್ಞಾನಿಯು ಆತ್ಮನು!
ನಾಮರೂಪಾತೀತನಾತನು; ಪಾಪಪುಣ್ಯಾತೀತನು!
ವಿಶ್ವಮಾಯಾಧೀಶನಾತನು; ಕನಸು ಕಾಣುವನಾತನು!
ಸಾಕ್ಷಿಯಾತನು; ಪ್ರಕೃತಿಜೀವನ ತೆರದಿ ತೋರುವನಾತನು!
ಎಲ್ಲಿ ಮುಕ್ತಿಯ ಹುಡುಕುವೆ?
ಏಕಿಂತು ಸುಮ್ಮನೆ ದುಡುಕುವೆ?
ಇಹವು ತೋರದು, ಪರವು ತೋರದು; ಗುಡಿಯೊಳದು ಮೈದೋರದು.
ವೇದ ತೋರದು, ಶಾಸ್ತ್ರ ತೋರದು; ಮತವು ಮುಕ್ತಿಯ ತೋರದು!
ನಿನ್ನ ಕೈಲಿದೆ ನಿನ್ನ ಬಿಗಿದಿಹ ಕಬ್ಬಿಣದ ಯಮಪಾಶವು;
ಬರಿದೆ ಶೋಕಿಪುದೇಕೆ? ಬಿಡು, ಬಿಡು! ನಿನಗೆ ನೀನೇ ಮೋಸವು!
ಬೇಡ, ಪಾಶವ ಕಡಿದು ಕೈಬಿಡು! ಹಾಡು ಸಂನ್ಯಾಸಿ–
ಓಂ! ತತ್! ಸತ್! ಓಂ! ॥ ೬ ॥

'ಶಾಂತಿ ಸರ್ವರಿಗಿರಲಿ' ಉಲಿಯೈ, 'ಜೀವಜಂತುಗಳಾಳಿಗೆ
ಹಿಂಸೆಯಾಗದೆ ಇರಲಿ ಎನ್ನಿಂದೆಲ್ಲ ಸೊಗದಲಿ ಬಾಳುಗೆ!
ಬಾನೊಳಾಡುವ, ನೆಲದೊಳೋಡುವ ಸರ್ವರಾತ್ಮನು ನಾನಹೆ;
ನಾಕನರಕಗಳಾಸೆಭಯಗಳನೆಲ್ಲ ಮನದಿಂದೂಡುವೆ!'
ದೇಹ ಬಾಳಲಿ, ಬೀಳಲಿ; –ಅದು
ಕರ್ಮನದಿಯಲಿ ತೇಲಲಿ!
ಕೆಲರು ಹಾರಗಳಿಂದ ಸಿಂಗರಿಸದನು ಪೂಜಿಸಿ ಬಾಗಲಿ!
ಕೆಲರು ಕಾಲಿಂದೊದೆದು ನೂಕಲಿ! ಹುಡಿಯು ಹುಡಿಯೊಳೆ ಹೋಗಲಿ!
ಎಲ್ಲ ಒಂದಿರಲಾರು ಹೊಗಳುವರಾರು ಹೊಗಳಿಸಿಕೊಂಬರು?
ನಿಂದೆ ನಿಂದಿಪರೆಲ್ಲ ಕೂಡಲು ಯಾರು ನಿಂದೆಯನುಂಬರು?
ಪಾಶಗಳ ಕಡಿ! ಬಿಸುಡು, ಕಿತ್ತಡಿ! ಹಾಡು ಸಂನ್ಯಾಸಿ –
ಓಂ! ತತ್! ಸತ್! ಓಂ! ॥ ೭ ॥

ಎಲ್ಲಿ ಕಾಮಿನಿಯೆಲ್ಲಿ ಕಾಂಚನದಾಸೆ ನೆಲೆಯಾಗಿರುವುದೊ,
ಸತ್ಯವೆಂಬುವುದಲ್ಲಿ ಸುಳಿಯದು! ಎಲ್ಲಿ ಕಾಮವು ಇರುವುದೊ,
ಅಲ್ಲಿ ಮುಕ್ತಿಯು ನಾಚಿ ತೋರದು! ಎಲ್ಲಿ ಸುಳಿವುದೊ ಭೋಗವು
ಅಲ್ಲಿ ತೆರೆಯದು ಮಾಯೆ ಬಾಗಿಲನಲ್ಲಿಹುದು ಭವರೋಗವು;
ಎಲ್ಲಿ ನೆಲಸದೊ ಚಾಗವು, –
ದಿಟವಲ್ಲಿ ಸೇರದು ಯೋಗವು!
ಗಗನವೇ ಮನೆ! ಹಸುರೆ ಹಾಸಿಗೆ! ಮನೆಯು ಸಾಲ್ವುದೆ ಚಾಗಿಗೆ?
ಹಸಿಯೊ, ಬಿಸಿಯೋ? ಬಿದಿಯು ಕೊಟ್ಟಾಹಾರವನ್ನವು ಯೋಗಿಗೆ!
ಏನು ತಿಂದರೆ, ಏನು ಕುಡಿದರೆ, ಏನು? ಆತ್ಮಗೆ ಕೊರತೆಯೆ?
ಸರ್ವಪಾಪವ ತಿಂದುತೇಗುವ ಗಂಗೆಗೇಂ ಕೊಳೆ ಕೊರತೆಯೆ?
ನೀನು ಮಿಂಚೈ! ನೀನು ಸಿಡಿಲೈ! ಮೊಳಗು ಸಂನ್ಯಾಸಿ–
ಓಂ! ತತ್! ಸತ್! ಓಂ! ॥ ೮ ॥

ನಿಜವನರಿತವರೆಲ್ಲೊ ಕೆಲವರು; ನಗುವರುಳಿದವರೆಲ್ಲರೂ
ನಿನ್ನ ಕಂಡರೆ, ಹೇ ಮಹಾತ್ಮನೆ! ಕುರುಡನರೇನನು ಬಲ್ಲರು?
ಗಣಿಸದವರನು ಹೋಗು, ಮುಕ್ತನೆ, ನೀನು ಊರಿಂದೂರಿಗೆ
ಸೊಗವ ಬಯಸದೆ, ಅಳಲಿಗಳುಕದೆ! ಕತ್ತಲಲಿ ಸಂಚಾರಿಗೆ
ನಿನ್ನ ಬೆಳಕನು ನೀಡೆಲೈ;–
ಸಂಸಾರ ಮಾಯೆಯದೂಡೆಲೈ!
ಇಂತು ದಿನದಿನ ಕರ್ಮಶಕ್ತಿಯು ಮುಗಿವವರೆಗೂ ಸಾಗೆಲೈ!
ನಾನು ನೀನುಗಳಳಿದು ಆತ್ಮದೊಳಿಳಿದು ಕಡೆಯೊಳು ಹೋಗೆಲೈ!
ಏಳು ಮೇಲೇಳೇಳು, ಸಾಧುವೆ, ಹಾಡು ಚಾಗಿಯ ಹಾಡನು!
ಹಾಡಿನಿಂದೆಚ್ಚರಿಸು ಮಲಗಿಹ ನಮ್ಮ ಈ ತಾಯ್ನಾಡನು!
ತತ್ತ್ವಮಸಿ ಎಂದರಿತು ಹಾಡೈ, ಧೀರ ಸಂನ್ಯಾಸಿ–
ಓಂ! ತತ್! ಸತ್! ಓಂ! । ।೯ ॥